

# ಕರ್ನಾಟಕ ವಿಧಾನಪರಿಷತ್ತು

ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 24-03-2021 ಪ್ರಶ್ನೆ ಸಂಖ್ಯೆ : 1758 (1993)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಎನ್. ರವಿಕುಮಾರ್ (ವಿಧಾನಸಭೆಯಿಂದ ಚುನಾಯಿತರಾದವರು)

ಉತ್ತರ ನೀಡಬೇಕಾದ ದಿನಾಂಕ : 24-03-2021

ಉತ್ತರಿಸುವ ಸಚಿವರು: ಮಾನ್ಯ ಕಂದಾಯ ಸಚಿವರು

ವಿಷಯ : ಶಿಕ್ಷಣ ಸಂಸ್ಥೆಗಳು ಸರ್ಕಾರಿ ಜಾಗ ಒತ್ತುವರಿ ಮಾಡಿದ ಕುರಿತು

(ಅ) ರಾಜ್ಯಾದ್ಯಂತ ಇರುವ ಶಿಕ್ಷಣ ಸಂಸ್ಥೆಗಳು ಎಷ್ಟು ಸರ್ಕಾರಿ ಜಾಗವನ್ನು ಅಕ್ರಮವಾಗಿ ಒತ್ತುವರಿ ಮಾಡಿಕೊಂಡಿವೆ; (ಜಿಲ್ಲಾವಾರು ಮಾಹಿತಿ ನೀಡುವುದು)

(ಆ) ಅಕ್ರಮವಾಗಿ ಒತ್ತುವರಿ ಮಾಡಿದ ಸರ್ಕಾರಿ ಜಾಗವನ್ನು ಅದೇ ಸಂಸ್ಥೆಗೆ ಮಂಜೂರುಮಾಡುವಂತೆ ಕೋರಿ ಎಷ್ಟು ಮನವಿಗಳು ಸರ್ಕಾರಕ್ಕೆ ಸಲ್ಲಿಕೆಯಾಗಿವೆ; (ಜಿಲ್ಲಾವಾರು ಮಾಹಿತಿ ನೀಡುವುದು)

(ಇ) ಅಕ್ರಮವಾಗಿ ಒತ್ತುವರಿ ಮಾಡಿದ ಸರ್ಕಾರಿ ಜಾಗವನ್ನು ಮಂಜೂರು ಮಾಡುವ ಸಮಯದಲ್ಲಿ ಆ ಜಾಗವನ್ನು ಮಂಜೂರು ಮಾಡಲು ನಿಗದಿಪಡಿಸುವ ಮೊತ್ತ ಎಷ್ಟು;

(ಈ) ಸದರಿ ಜಾಗವನ್ನು ಅಕ್ರಮವಾಗಿ ಒತ್ತುವರಿ ಮಾಡಿಕೊಂಡು ಅನೇಕ ವರ್ಷಗಳಿಂದ ಅನುಭವಿಸಿಕೊಂಡು ಬರಲಾಗಿದೆ ಎಂಬುದಾಗಿ ಲಿಖಿತ ಹೇಳಿಕೆ ನೀಡುವ ಸಂಸ್ಥೆಗಳಿಗೆ ಅದೇ ಜಾಗವನ್ನು ಮಂಜೂರು ಮಾಡುವ ಸಮಯದಲ್ಲಿ ಮಾರುಕಟ್ಟೆ ದರಕ್ಕಿಂತ 10 ಪಟ್ಟುದರ ನಿಗದಿ ಮಾಡುವ ಕುರಿತು ಸರ್ಕಾರದ ನಿಲುವೇನು?